# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 596
ಸದಸ್ಯರ ಹೆಸರು : ಶ್ರೀ ಸುನೀಲ್ ಸುಬ್ರಮಣಿ ಎಂ.ಪಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)
ಉತ್ತರಿಸಬೇಕಾದ ದಿನಾಂಕ : 24.09.2020
ಉತ್ತರಿಸುವವರು : ಮುಖ್ಯಮಂತ್ರಿಗಳು

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕೊಡಗು ಜಿಲ್ಲೆಯಲ್ಲಿ ಸಣ್ಣ ಕೈಗಾರಿಕೆ ಅಭಿವೃದ್ಧಿಗಾಗಿ ಮತ್ತು ಅದರ ಆಕರ್ಷಣೆಗಾಗಿ ಯಾವುದಾದರೂ ಯೋಜನೆಗಳನ್ನು ಸರ್ಕಾರ ರೂಪಿಸಿದೆಯೇ; ಹಾಗಿದ್ದಲ್ಲಿನ ಯೋಜನೆಗಳು ಯಾವುವು; (ವಿವರ ನೀಡುವುದು) | ಕೊಡಗು ಜಿಲ್ಲೆಯಷ್ಟಲ್ಲದೇ ರಾಜ್ಯದ ಪಟ್ಟಣ ಹಾಗೂ ಗ್ರಾಮೀಣ ಪ್ರದೇಶಗಳಲ್ಲಿ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರವು ರೂಪಿಸಿರುವ ಯೋಜನೆಗಳು ಈ ಕೆಳಗಿನಂತಿವೆ:<br><br>ಕೇಂದ್ರ ಸರ್ಕಾರದ ಪ್ರಧಾನಮಂತ್ರಿಗಳ ಉದ್ಯೋಗ ಸೃಜನಾ ಯೋಜನೆಯಡಿ ನಗರ ಮತ್ತು ಗ್ರಾಮೀಣ ಪ್ರದೇಶಗಳಲ್ಲಿ ಕೈಗಾರಿಕೆಗಳನ್ನು ಸ್ಥಾಪಿಸಲು ಗರಿಷ್ಟ ಸಾಲ ರೂ.25 ಲಕ್ಷಗಳವರೆಗೆ ಬ್ಯಾಂಕ್‌ಗಳ ಮೂಲಕ ಸಾಲ ಸೌಲಭ್ಯ ಒದಗಿಸಿ ಸಣ್ಣ ಉದ್ಯಮಗಳನ್ನು . ಸ್ಥಾಪಿಸಿ ಸ್ವಯಂಉದ್ಯೋಗ ಕೈಗೊಳ್ಳಲು ಅನುಕೂಲ ಒದಗಿಸಲಾಗುವುದು ಹಾಗೂ ಯೋಜನಾ ವೆಚ್ಚದ ಮೇಲೆ ಶೇ. 15 ರಿಂದ ಶೇ.35 ರವರೆಗೆ ಗರಿಷ್ಟ ರೂ.3.75 ಲಕ್ಷದಿಂದ ರೂ.8.75 ಲಕ್ಷದವರೆಗೆ ಸಹಾಯಧನ ನೀಡಲಾಗುತ್ತಿದೆ.<br><br>ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಮಹಿಳಾ ಉದ್ದಿಮೆದಾರರಿಗೆ ಶೇಕಡ 4ರ ಬಡ್ಡಿದರದಲ್ಲಿ ರೂ.2.00 ಕೋಟಿಯವರೆಗೂ ಸಾಲ ಸೌಲಭ್ಯ ಒದಗಿಸಲಾಗುತ್ತಿದೆ.<br><br>ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಸೂಕ್ಷ್ಮ ಮತ್ತು ಸಣ್ಣ ಕೈಗಾರಿಕೆಗಳು ಸ್ಥಾಪಿಸಲು ರೂ.5.00 ಕೋಟಿಗಳವರೆಗೆ ಸಾಲ ಪಡೆದು ನಿಗದಿತ ಸಮಯದಲ್ಲಿ ಮರುಪಾವತಿ ಮಾಡಿದ ಅತಿ ಸಣ್ಣ ಮತ್ತು ಸಣ್ಣ ಕೈಗಾರಿಕಾ ಘಟಕಗಳಿಗೆ 5 ವರ್ಷಗಳ ಅವಧಿಗೆ ಶೇಕಡ 6ರಂತೆ ಬಡ್ಡಿ ಸಹಾಯಧನ ನೀಡಲಾಗುವುದು.<br><br>ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಶೇ 75 ರಿಯಾಯಿತಿ ದರದಲ್ಲಿ ಕೈಗಾರಿಕಾ ನಿವೇಶನಗಳನ್ನು (ಗರಿಷ್ಟ 2 ಎಕರೆ) ಮತ್ತು ಕೈಗಾರಿಕಾ ಶೆಡ್‌ಗಳನ್ನು ನೀಡಲಾಗುತ್ತಿದೆ.<br><br>ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಸ್ವಯಂಉದ್ಯೋಗ ಕೈಗೊಳ್ಳಲು ಬ್ಯಾಂಕಿನಿಂದ ಸಾಲ ಒದಗಿಸಿ ಯೋಜನಾ ವೆಚ್ಚದ ಮೇಲೆ ಶೇ 60ರಷ್ಟು ಗರಿಷ್ಟ ರೂ.5.00 ಲಕ್ಷ ಸಹಾಯಧನ ನೀಡಲಾಗುತ್ತಿದೆ.<br><br>ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ಪಂಗಡದ ಮೊದಲ ಪೀಳಿಗೆಯ ಉದ್ಯಮಿದಾರರು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಪಡೆದು ಸ್ಥಾಪಿಸುವ ಹೊಸ ಘಟಕಗಳಿಗೆ ಗರಿಷ್ಟ ರೂ.2.00 ಕೋಟಿ ಯೋಜನಾ ವೆಚ್ಚದಲ್ಲಿ The Debt Equity Ratio 2:1 ಪ್ರಕಾರ (2/3 ರಷ್ಟು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಮತ್ತು 1/3 ಪ್ರವರ್ತಕರ ಬಂಡವಾಳ) ಘಟಕಕ್ಕೆ ಪ್ರವರ್ತಕ ಬಂಡವಾಳ |

| | | |
|---|---|---|
| | | ಹೂಡಿಕೆಯ 1/3 ರಲ್ಲಿ ಶೇ.50 ರಷ್ಟು ಬಡ್ಡಿರಹಿತ ಗರಿಷ್ಟ ರೂ.33 ಲಕ್ಷ ಸಾಫ್ಟ್ ಸೀಡ್ ಕ್ಯಾಪಿಟಲ್ ಆರ್ಥಿಕ ಸಹಾಯ ನೀಡಲಾಗುತ್ತಿದೆ.<br><br>ದಿನಾಂಕ:01-04-2017 ರಿಂದ ಮೊದಲ ಬಾರಿಗೆ ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡದವರು ಸ್ಥಾಪಿಸುವ ಸಣ್ಣ ಮತ್ತು ಅತೀ ಸಣ್ಣ ಘಟಕಗಳು ಸಾಲ ಪಡೆಯುವ ಸಂದರ್ಭದಲ್ಲಿ ಕೆ.ಎಸ್.ಎಫ್.ಸಿ ಮತ್ತು ಇತರೇ ಹಣಕಾಸು ಸಂಸ್ಥೆಯವರು ವಿಧಿಸಿರುವ ಪರಿಷ್ಕರಣಾ ಶುಲ್ಕ, ಕಾನೂನು ಶುಲ್ಕ, ಏಕಕಾಲಿಕ ಸಾಲ ವಿತರಣಾ ಶುಲ್ಕ ಮತ್ತು ಇತರೆ ಶುಲ್ಕಗಳನ್ನು ಭರಿಸಲಾಗುತ್ತಿದೆ.<br><br>ಪರಿಶಿಷ್ಟ ಜಾತಿ/ ಪರಿಶಿಷ್ಟ ಪಂಗಡದ ಉದ್ಯಮಗಳು ದಿನಾಂಕ: 01-04-2017 ರಿಂದ ಪ್ರಾರಂಭವಾಗಿರುವ ಹೊಸ ಸಣ್ಣ ಮತ್ತು ಅತೀ ಸಣ್ಣ ಕೈಗಾರಿಕಾ ಘಟಕಗಳಿಗೆ ಮೊದಲ 5 ವರ್ಷಗಳ ಅವಧಿಗೆ ಪ್ರತಿ ಯುನಿಟ್‌ಗೆ 2 ರೂ.ಗಳಷ್ಟು ವಿದ್ಯುಚ್ಛಕ್ತಿ ಸಹಾಯಧನ ನೀಡಲಾಗುತ್ತಿದೆ.<br><br>ಕರ್ನಾಟಕ ರಾಜ್ಯ ಕೈಗಾರಿಕಾ ನೀತಿ 2020-25 ರಂತೆ ಕೆಳಕಾಣಿಸಿದ ಪ್ರೋತ್ಸಾಹ ಮತ್ತು ರಿಯಾಯಿತಿ ಸೌಲಭ್ಯಗಳನ್ನು ಅರ್ಹ ಕೈಗಾರಿಕೆಗಳಿಗೆ ನೀಡಿ ಉತ್ತೇಜಿಸಲಾಗುತ್ತಿದೆ.<br>1. ಮುದ್ರಾಂಕ ಶುಲ್ಕ ವಿನಾಯಿತಿ<br>2. ನೋಂದಣಿ ಶುಲ್ಕ ರಿಯಾಯಿತಿ.<br>3. ಬಂಡವಾಳ ಹೂಡಿಕೆ ಸಹಾಯಧನ<br>4. ಕಿರು ಮತ್ತು ಸಣ್ಣ ಕೈಗಾರಿಕೆಗಳಿಗೆ ವಿದ್ಯುತ್ ಸಹಾಯಧನ<br>5. ಭೂ ಪರಿವರ್ತನಾ ಶುಲ್ಕ ಮರುಪಾವತಿ.<br>6. ರಫ್ತು ಆಧಾರಿತ ಘಟಕಗಳಿಗೆ ರಿಯಾಯಿತಿ.<br>7. ತ್ಯಾಜ್ಯ ಸಂಸ್ಕರಣಾ ಘಟಕಗಳ ಸ್ಥಾಪನೆಗೆ ಸಹಾಯಧನ.<br>8. ವಿದ್ಯುತ್ ತೆರಿಗೆ ವಿನಾಯಿತಿ<br>9. ತಾಂತ್ರಿಕ ಉನ್ನತೀಕರಣ, ಗುಣಮಟ್ಟ ಪ್ರಮಾಣ ಪತ್ರ ಸಹಾಯಧನ<br>10. ಮಳೆ ನೀರುಕೊಯ್ಲು / ಸಂರಕ್ಷಣೆ ಸಹಾಯಧನ<br><br>ಕರ್ನಾಟಕ ರಾಜ್ಯ ಕೃಷಿ ವಾಣಿಜ್ಯ ಮತ್ತು ಆಹಾರ ಸಂಸ್ಕರಣಾ ನೀತಿ 2015 ರಂತೆ ಕೆಳಕಾಣಿಸಿದ ಪ್ರೋತ್ಸಾಹ ಮತ್ತು ರಿಯಾಯಿತಿ ಸೌಲಭ್ಯಗಳನ್ನು ಅರ್ಹ ಕೈಗಾರಿಕೆಗಳಿಗೆ ನೀಡಿ ಉತ್ತೇಜಿಸಲಾಗುತ್ತಿದೆ.<br>1. ಮುದ್ರಾಂಕ ಶುಲ್ಕ ವಿನಾಯಿತಿ<br>2. ನೋಂದಣಿ ಶುಲ್ಕ ರಿಯಾಯಿತಿ.<br>3. ಬಂಡವಾಳ ಹೂಡಿಕೆ ಸಹಾಯಧನ<br>4. ಬಡ್ಡಿ ಸಹಾಯಧನ<br>5. ಭೂ ಪರಿವರ್ತನಾ ಶುಲ್ಕ ಮರುಪಾವತಿ.<br>6. ಕೃಷಿ ಉತ್ಪನ್ನ ಮಾರುಕಟ್ಟೆತೆರಿಗೆಯಿಂದ ವಿನಾಯಿತಿ.<br>7. ತ್ಯಾಜ್ಯ ಸಂಸ್ಕರಣಾಯಂತ್ರ ಸ್ಥಾಪನೆಗೆ ಸಹಾಯಧನ. |
| ಆ) | ಕೊಡಗು ಜಿಲ್ಲೆಗೆ ಪೂರಕವಾಗುವಂತೆ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಮತ್ತು ಪೂರಕ ವಾತಾವರಣವನ್ನು ನಿರ್ಮಿಸಲು ಸರ್ಕಾರದ ಕ್ರಮಗಳೇನು? (ಮಾಹಿತಿ ನೀಡುವುದು) | ಕೊಡಗು ಜಿಲ್ಲೆಯಲ್ಲಿ ನೇಚರ್ಸ್ ಬೆಸ್ಟ್ ಫುಡ್‌ಕ್ಲಸ್ಟರ್ ಸ್ಥಾಪಿಸಲು ಈಗಾಗಲೇ ರೂ.18.80 ಕೋಟಿ ವೆಚ್ಚದ ಯೋಜನೆಯನ್ನು ಸಿದ್ಧಪಡಿಸಿ ಕೇಂದ್ರ ಸರ್ಕಾರಕ್ಕೆ ಸಲ್ಲಿಸಲಾಗಿದೆ.<br><br>ಜಿಲ್ಲೆಯಲ್ಲಿ ಕಾಫಿ, ಮೆಣಸು, ಜೇನು ಮುಂತಾದ 100 ಕ್ಕೂ ಹೆಚ್ಚು ಉತ್ಪನ್ನಗಳನ್ನು ಒಳಗೊಂಡ 162 ಕೈಗಾರಿಕೋದ್ಯಮಿಗಳನ್ನು ಒಳಗೊಂಡ ಕ್ಲಸ್ಟರ್ ಸ್ಥಾಪನೆಗೆ ಕ್ರಮ ಕೈಗೊಳ್ಳಲಾಗುತ್ತಿದೆ. |

| | | |
|---|---|---|
| | | ಕೊಡಗು ಜಿಲ್ಲೆಯಲ್ಲಿ ಈ ಕೆಳಗಿನಂತೆ ಕೈಗಾರಿಕಾ ಪ್ರದೇಶ ಮತ್ತು ಕೈಗಾರಿಕಾ ವಸಾಹತುಗಳನ್ನು ಸ್ಥಾಪಿಸಲಾಗಿದೆ:<br>ಮಡಿಕೇರಿ ತಾಲ್ಲೂಕಿನ ಮಡಿಕೇರಿಯಲ್ಲಿ, ಸೋಮವಾರಪೇಟೆಯ ತಾಲ್ಲೂಕಿನ ಕುಶಾಲನಗರದಲ್ಲಿ ಕೈಗಾರಿಕಾ ಪ್ರದೇಶ ಮತ್ತು ಕೈಗಾರಿಕಾ ವಸಾಹತುಗಳನ್ನು ಸ್ಥಾಪಿಸಲಾಗಿದ್ದು ಕುಶಾಲನಗರದಲ್ಲಿ 2ನೇ ಹಂತದ ಕೈಗಾರಿಕಾ ವಸಾಹತುವನ್ನು 2015 ರಲ್ಲಿ ವಿಸ್ತರಣೆ ಮಾಡಲಾಗಿದೆ. |

ಸಿಐ114 ಸಿಎಸ್‌ಸಿ 2020

ಬಿ.ಎಸ್. ಯಡಿಯೂರಪ್ಪ

(ಬಿ.ಎಸ್.ಯಡಿಯೂರಪ್ಪ)

ಮುಖ್ಯಮಂತ್ರಿ